

# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | : | 998 |
| ಸದಸ್ಯರ ಹೆಸರು | : | ಶ್ರೀ ಕೆ. ಪ್ರತಾಪಚಂದ್ರ ಶೆಟ್ಟಿ |
| ಉತ್ತರಿಸುವ ದಿನಾಂಕ | : | 21/09/2021 |
| ಉತ್ತರಿಸುವ ಸಚಿವರು | : | ಮಾನ್ಯ ಪೌರಾಡಳಿತ, ಸಣ್ಣ ಕೈಗಾರಿಕೆಗಳು ಹಾಗೂ ಸಾರ್ವಜನಿಕ ವಲಯ ಉದ್ಯಮಗಳ ಸಚಿವರು. |

| ಕ್ರ. ಸಂ | ಪ್ರಶ್ನೆ | ಉತ್ತರ |
|---|---|---|
| (ಅ) | ರಾಜ್ಯದಲ್ಲಿ ಪುರಸಭೆಯನ್ನು ಮೇಲ್ದರ್ಜೆಗೇರಿಸಲು ಅನುಸರಿಸುವ ಮಾನದಂಡಗಳಾವುವು; (ಮಾರ್ಗಸೂಚಿ, ಸುತ್ತೋಲೆ ಒದಗಿಸುವುದು); ರಾಜ್ಯದಲ್ಲಿ ಯಾವ ಯಾವ ಪುರಸಭೆಗಳನ್ನು ನಗರಸಭೆಯಾಗಗಿ ಮೇಲ್ದರ್ಜೆಗೇರಿಸುವ ಪ್ರಸ್ತಾವನೆಗಳು ಸರ್ಕಾರದ ಮುಂದಿದೆ; | ಪುರಸಭೆಯನ್ನು ನಗರಸಭೆಯನ್ನಾಗಿ ಮೇಲ್ದರ್ಜೆಗೇರಿಸಲು ಕರ್ನಾಟಕ ಪುರಸಭೆಗಳ ಅಧಿನಿಯಮ 1964 ರ ಕಲಂ ನಿಯಮ 3 ಮತ್ತು 9 ರನ್ವಯ ಈ ಕೆಳಕಂಡ ಮಾನದಂಡಗಳನ್ನು ಅನುಸರಿಸಲಾಗುವುದು.<br>1 ಆ ಪ್ರದೇಶದ ಜನಸಂಖ್ಯೆ 50,000 ಕ್ಕೆ ಕಡಿಮೆ ಇಲ್ಲದಂತೆ ಹಾಗೂ 3 ಲಕ್ಷಕ್ಕೆ ಹೆಚ್ಚಿಲ್ಲದಂತಿರಬೇಕು,<br>2 ಅಂತಹ ಪ್ರದೇಶದ ಜನಸಂಖ್ಯೆಯ ಜನಸಾಂದ್ರತೆಯು ಆ ಪ್ರದೇಶದ ಒಂದು ಚದುರ ಕಿ.ಮೀ. ವಿಸ್ತೀರ್ಣಕ್ಕೆ 1500 ಕ್ಕಿಂತ ಕಡಿಮೆ ಇಲ್ಲದಿರುವುದು.<br>3 ಹಿಂದಿನ ನಿಕಟಪೂರ್ವ ಜನಗಣತಿಯಲ್ಲಿ ಅಂತಹ ಪ್ರದೇಶದಿಂದ ಸ್ಥಳೀಯ ಆಡಳಿತಕ್ಕಾಗಿ ತೆರಿಗೆ ಮತ್ತು ತೆರಿಗೆಯಲ್ಲದ ಇತರ ಸಂಪನ್ಮೂಲಗಳಿಂದ ಉತ್ಪಾದಿತವಾದ ರಾಜಸ್ವ ವಾರ್ಷಿಕ ಒಂಬತ್ತು ಲಕ್ಷ ಅಥವಾ ವಾರ್ಷಿಕ ತಲಾ ಒಬ್ಬರಿಗೆ 45 ರೂಪಾಯಿಗಳ ದರದಂತೆ ಲೆಕ್ಕ ಹಾಕಲಾದ ಮೊತ್ತ ಇವೆರಡರಲ್ಲಿ ಯಾವುದು ಹೆಚ್ಚೋ ಆ ಮೊತ್ತಕ್ಕಿಂತ ಕಡಿಮೆ ಇರದ ಹೊರತು,<br>4 ಕೃಷಿಯೇತರ ಚಟುವಟಿಕೆಗಳಲ್ಲಿನ ಉದ್ಯೋಗಾವಕಾಶಗಳ ಶೇಕಡಾವಾರು ಪ್ರಮಾಣವು ಒಟ್ಟು ಉದ್ಯೋಗದ ಪ್ರಮಾಣಕ್ಕಿಂತ ಶೇ.50 ಕ್ಕಿಂತ ಕಡಿಮೆ ಇಲ್ಲದಿರುವುದು.<br><br>ಪ್ರಸ್ತುತ ಪುರಸಭೆಯಿಂದ ನಗರಸಭೆಗೆ ಮೇಲ್ದರ್ಜೆಗೇರಿಸುವ ಸಂಬಂಧ ಯಾವುದೇ ಪ್ರಸ್ತಾವನೆ ಇರುವುದಿಲ್ಲ. |

| | | |
|---|---|---|
| (ಆ) | ಉಡುಪಿ ಜಿಲ್ಲೆಯ ಕುಂದಾಪುರ ಪುರಸಭೆಯನ್ನು ನಗರಸಭೆಯಾಗಿ ಮೇಲ್ದರ್ಜೆಗೇರಿಸುವ ಪ್ರಸ್ತಾವನೆ ಸರ್ಕಾರದ ಮುಂದಿದೆಯೇ; | ಪ್ರಸ್ತುತ ಉಡುಪಿ ಜಿಲ್ಲೆಯ ಕುಂದಾಪುರ ಪುರಸಭೆಯನ್ನು ನಗರಸಭೆಯಾಗಿ ಮೇಲ್ದರ್ಜೆಗೇರಿಸುವ ಪ್ರಸ್ತಾವನೆ ಇರುವುದಿಲ್ಲ. |
| (ಇ) | ಇದ್ದಲ್ಲಿ, ಯಾವ ಯಾವ ಗ್ರಾಮ ಪಂಚಾಯಿತಿಗಳನ್ನು ಸೇರಿಸಿ ಮೇಲ್ದರ್ಜೆಗೇರಿಸಲಾಗುವುದು; ಯಾವ ಯಾವ ಗ್ರಾಮ ಪಂಚಾಯಿತಿಗಳು ಬೇಡಿಕೆ ಸಲ್ಲಿಸಿರುತ್ತವೆ; ಬೇಡಿಕೆ ಸಲ್ಲಿಸದೇ ಇರುವ ಗ್ರಾಮ ಪಂಚಾಯಿತಿಗಳು ಯಾವುವು; ಪ್ರಸ್ತಾವನೆ ಯಾವ ಹಂತದಲ್ಲಿದೆ; ಯಾವಾಗ ಮಾಡಲಾಗುವುದು? | |

ಸಂಖ್ಯೆ: ನಅಇ/33/ಎಲ್‌ಸಿಕ್ಯೂ/2021

N. Nagaraju
**(ಎನ್. ನಾಗರಾಜು ಎಂ ಟಿಬಿ)**
ಮಾನ್ಯ ಪೌರಾಡಳಿತ, ಸಣ್ಣ ಕೈಗಾರಿಕೆಗಳು ಹಾಗೂ
ಸಾರ್ವಜನಿಕ ವಲಯ ಉದ್ಯಮಗಳ ಸಚಿವರು.